ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 02ನೇ ಮಾರ್ಚ್, 2020

ರಾಜ್ಯದಲ್ಲಿ ಅಧಿಕವಾಗಿರುವ ಶಿಶು ಮರಣದ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ್ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

100 (140) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಇತ್ತೀಚಿನ ದಿನಗಳಲ್ಲಿ ರಾಜ್ಯದಲ್ಲಿ ಒಂದು ವರ್ಷದ ಒಳಗಿನ ಮಕ್ಕಳು ಹೆಚ್ಚಿನ ಸಂಖ್ಯೆಯಲ್ಲಿ ಸಾವನ್ನಪ್ಪುತ್ತಿರುವ ಬಗ್ಗೆ ದಿನಪತ್ರಿಕೆಗಳಲ್ಲಿ ವರದಿಗಳು ಬಂದಿದ್ದು, ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಯಾವ ಯಾವ ಕಾರಣಗಳಿಗಾಗಿ ಒಂದು ವರ್ಷದ ಒಳಗಿನ ಮಕ್ಕಳು ಹೆಚ್ಚಿನ ಸಂಖ್ಯೆಯಲ್ಲಿ ಸಾವನ್ನಪ್ಪಿವೆ; (ವಿವರ ಒದಗಿಸುವುದು)

(ಇ) ರಾಜ್ಯದಲ್ಲಿ ಕಳೆದ ಒಂದು ವರ್ಷದಲ್ಲಿ ಸರ್ಕಾರಿ ಹಾಗೂ ಖಾಸಗಿ ಆಸ್ಪತ್ರೆಗಳಲ್ಲಿ ಒಂದು ವರ್ಷದೊಳಗೆ ಅಸುನೀಗಿರುವ ಮಕ್ಕಳ ಸಂಖ್ಯೆ ಎಷ್ಟು; (ಜಿಲ್ಲಾವಾರು ಮಾಹಿತಿ ನೀಡುವುದು)

(ಈ) ಒಂದು ವರ್ಷದೊಳಗಿನ ಮಕ್ಕಳ ಆರೋಗ್ಯದ ಕುರಿತು ಸರ್ಕಾರ ಹಾಕಿಕೊಂಡಿರುವ ಯೋಜನೆಗಳು ಯಾವುವು?